# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1682

ಮಾನ್ಯ ಸದಸ್ಯರ ಹೆಸರು : ಡಾ.ಚಂದ್ರಶೇಖರ್.ಬಿ.ಪಾಟೀಲ್(ಪದವೀಧರರ ಕ್ಷೇತ್ರ)

ಉತ್ತರಿಸುವ ದಿನಾಂಕ : 23-03-2020

ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು.

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| (ಅ) | ಅನುದಾನಿತ ಶಾಲಾ ಶಿಕ್ಷಕರಿಗೆ ಮತ್ತು ಉಪನ್ಯಾಸಕರಿಗೆ ಕಾಲ್ಪನಿಕ ವೇತನ ಬಡ್ತಿ ಮಂಜೂರಿಗೆ ಸಂಬಂಧಿಸಿದಂತೆ ವರದಿ ನೀಡಲು ಶ್ರೀ ಬಸವರಾಜ ಹೊರಟ್ಟಿ ಅವರ ಅಧ್ಯಕ್ಷತೆಯಲ್ಲಿ ರಚಿಸಿದ ಸಮಿತಿಯು ಸರ್ಕಾರಕ್ಕೆ ವರದಿಯನ್ನು ಸಲ್ಲಿಸಿದೆಯೇ; | ಸಲ್ಲಿಸಿದೆ. |
| (ಆ) | ಸಲ್ಲಿಸಿದ್ದಲ್ಲಿ, ಸದರಿ ಸಮಿತಿಯವರು ನೀಡಿರುವ ವರದಿಯನ್ನು ಯಥಾವತ್ತಾಗಿ ಜಾರಿಗೊಳಿಸಲು ಸರ್ಕಾರಕ್ಕೆ ಬೇಕಾಗುವ ಕಾಲಾವಕಾಶ ಎಷ್ಟು; ಈ ವಿಷಯದ ಬಗ್ಗೆ ಸರ್ಕಾರದ ಸ್ಪಷ್ಟ ನಿಲುವೇನು? | ಅನುದಾನ ಸಂಹಿತೆಯ ಪ್ರಕಾರ ಅನುದಾನಕ್ಕೊಳಪಟ್ಟ ಸಿಬ್ಬಂದಿಗೆ ಅನುದಾನ ದೊರೆತ ದಿನಾಂಕದಿಂದ ಮಾತ್ರ ಕನಿಷ್ಠ ವೇತನ ನಿಗದಿ ಮಾಡಬೇಕೆಂದು, ಹಿಂದಿನ ಸೇವಾವಧಿಯನ್ನು ಯಾವುದೇ ಸೇವಾ ಸೌಲಭ್ಯಕ್ಕೆ ಪರಿಗಣಿಸುವಂತಿಲ್ಲ. ಈ ಸಂಬಂಧ ಸರ್ಕಾರವು ದಿನಾಂಕ:01-06-1995 ರಿಂದಲೇ ಪೂರ್ವಾನ್ವಯವಾಗಿ ಜಾರಿಗೆ ಬರುವಂತೆ ಕರ್ನಾಟಕ ಖಾಸಗಿ ಅನುದಾನಿತ ಶೈಕ್ಷಣಿಕ ಸಂಸ್ಥೆಗಳ ಸಿಬ್ಬಂಧಿಗಳ (ವೇತನ, ನಿವೃತ್ತಿ ವೇತನ ಮತ್ತು ಇತರೇ ಸೌಲಭ್ಯಗಳ ನಿಯಂತ್ರಣ) ಅಧಿನಿಯಮ 2014ನ್ನು ಜಾರಿಗೆ ತರಲಾಗಿದೆ.<br>ಈ ಅಧಿನಿಯಮವನ್ನು ಅನುದಾನಿತ ಶಿಕ್ಷಣ ಸಂಸ್ಥೆಗಳ ಸಿಬ್ಬಂದಿಗಳು ಪ್ರಶ್ನಿಸಿರುವ ರಿಟ್ ಅರ್ಜಿಗಳಾದ 21216/2014 ಮತ್ತು 14307/2014 ಮತ್ತು ತತ್ಸಂಬಂಧದ ಪ್ರಕರಣಗಳಲ್ಲಿ ಮಾನ್ಯ ಉಚ್ಛನ್ಯಾಯಾಲಯವು ದಿನಾಂಕ:10-07-2015ರಂದು ನೀಡಿದ ತೀರ್ಪಿನಲ್ಲಿ ಸದರಿ ಅಧಿನಿಯಮವನ್ನು "struck down " ಮಾಡಿರುತ್ತದೆ. |
| | | ಮೇಲಿನ ಮಾನ್ಯ ನ್ಯಾಯಾಲಯದ ತೀರ್ಪನ್ನು ಪ್ರಶ್ನಿಸಿ ಸರ್ಕಾರವು ಮಾನ್ಯ ಉಚ್ಛನ್ಯಾಯಾಲಯ . ಬೆಂಗಳೂರು ಇಲ್ಲಿ ರಿಟ್ ಅಪೀಲ್ ಸಂಖ್ಯೆ:2476/2015 ಮತ್ತು 2467/2015ನ್ನು ದಾಖಲಿಸಿದೆ. ಮೇಲಿನ ರಿಟ್ ಅರ್ಜಿಗಳಲ್ಲಿ ನೀಡಿದ ತೀರ್ಪಿಗೆ ದಿನಾಂಕ:27-11-2015ರಂದು ತಡೆಯಾಜ್ಞೆ ನೀಡಿರುತ್ತದೆ.ಸದರಿ ತಡೆಯಾಜ್ಞೆಯು ಪ್ರಸ್ತುತ ಜಾರಿಯಲ್ಲಿದ್ದು. ಪ್ರಕರಣವು ಮಾನ್ಯ ನ್ಯಾಯಾಲಯದಲ್ಲಿ ಬಾಕಿಯಿರುತ್ತದೆ.<br>ಸಮಿತಿಯ ವರದಿ ಮತ್ತು ಇಲಾಖೆಗಳಲ್ಲಿನ ವಾಸ್ತವ ಅಂಕಿಅಂಶಗಳನ್ನು ಪರಿಶೀಲಿಸಲಾಗಿ.ಹಾಲಿ ನೀಡಲಾಗುತ್ತಿರುವ ವೇತನಕ್ಕೆ ಅನುದಾನ ರಹಿತ ಅವಧಿಯನ್ನು ಪರಿಗಣನೆಗೆ ತೆಗೆದುಕೊಂಡು ವೇತನವನ್ನು ಪರಿಷ್ಕರಿಸಿದಲ್ಲಿ ಹೆಚ್ಚುವರಿಯಾಗಿ ವಾರ್ಷಿಕವಾಗಿ ರೂ.359.87ಕೋಟಿಗಳ ಅನುದಾನವು ಬೇಕಾಗುತ್ತದೆ. ಆದರೆ, ಅವರಿಗೆ ಹಿಂಬಾಕಿ ಮತ್ತು ಪಿಂಚಣಿಗಾಗಿ ತಗಲುವ ಅಂದಾಜು ವೆಚ್ಚವು ಪ್ರಸ್ತಾಪಿತ ರೂ.359.87 ಕೋಟಿಗಳಲ್ಲಿ ಒಳಗೊಂಡಿರುವುದಿಲ್ಲ. ಸದರಿ ಮೊತ್ತವಾದ ರೂ.359.87/- |

| | | |
|---|---|---|
| | | ಕೋಟಿ ಒಂದು ವರ್ಷಕ್ಕೆ ಬೇಕಾದ ಹೆಚ್ಚುವರಿ ಮೊತ್ತವಾಗುತ್ತದೆ.ಈ ಅನುಕೂಲ ಪಡೆಯುವ ಸಿಬ್ಬಂದಿ ಪೂರ್ಣ ಸೇವಾವಧಿಯಲ್ಲಿ ಪಡೆಯುವ ಮೊತ್ತದ ಒಟ್ಟು ಮೊತ್ತದ ಲೆಕ್ಕಾಚಾರ ಇಲಾಖೆಗಳಲ್ಲಿ ಇನ್ನು ಆಗಿರುವುದಿಲ್ಲ.ಹಾಗೆಯೇ ನಿವೃತ್ತಿ ಸೌಲಭ್ಯಗಳ ಒಟ್ಟಾರೆ ಆರ್ಥಿಕ ಹೊರೆ ರೂ.1637.61ಕೋಟಿ ಗಳಾಗಿದ್ದು,ಇದರ ವರ್ಷವಾರು ಆರ್ಥಿಕ ಹೊರೆ ಸಹ ಲೆಕ್ಕಹಾಕಿರುವುದಿಲ್ಲ.ಈ ಎರಡೂ ಮೊತ್ತಗಳ ಮಾಹಿತಿಯನ್ನು ಸಂಗ್ರಹಿಸಲಾಗುತ್ತಿದೆ. ಅನುದಾನರಹಿತ ಸೇವಾವಧಿಯ ಸಂಬಂಧ ನೀಡಬೇಕಾದ ವೇತನ ಬಾಕಿ ಮೊತ್ತ ರೂ.3083.54 ಕೋಟಿಗಳೆಂದು ಅಂದಾಜಿಸಲಾಗಿದೆ.<br>ಮೇಲ್ಕಂಡ ಅಂಶಗಳ ಹಿನ್ನೆಲೆಯಲ್ಲಿ, ಸಮಿತಿಯ ಶಿಫಾರಸ್ಸುಗಳನ್ನು ಜಾರಿಗೆ ತರುವಲ್ಲಿ ನಿರ್ದಿಷ್ಟ ನಿಲುವನ್ನು ತಳೆಯಲು ಸರ್ಕಾರಕ್ಕೆ ಸಾದ್ಯವಾಗಿರುವುದಿಲ್ಲ. |

**ಸಂ:ಇಪಿ|ಟಿಎಸ್‌ಇಎಸ್ 2020**

S. Su—

**(ಎಸ್. ಸುರೇಶ್ ಕುಮಾರ್)**
**ಪ್ರಾಥಮಿಕ & ಪ್ರೌಢಶಿಕ್ಷಣ ಹಾಗೂ**
**ಸಕಾಲ ಸಚಿವರು**